## ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 948
ಸದಸ್ಯರ ಹೆಸರು : ಶ್ರೀ ಆರ್. ಪ್ರಸನ್ನ ಕುಮಾರ್ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)
ಉತ್ತರಿಸುವ ದಿನಾಂಕ : 20-09-2021. (ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಇಲಾಖೆಯಿಂದ ವರ್ಗಾವಣೆ)
ಉತ್ತರಿಸುವವರು : ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು.

| ಕ್ರಸಂ | ಪ್ರಶ್ನೆ | ಉತ್ತರ |
|---|---|---|
| (ಅ) | ರಾಜ್ಯದ ಪ್ರತಿ ಗ್ರಾಮ ಪಂಚಾಯಿತಿಯಲ್ಲಿ ಸಾರ್ವಜನಿಕ ಗ್ರಂಥಾಲಯ ಇದೆಯೇ; ಇಲ್ಲವಾದಲ್ಲಿ, ಸಾರ್ವಜನಿಕ ಗ್ರಂಥಾಲಯ ಸ್ಥಾಪನೆಗೆ ಸರ್ಕಾರ ತೆಗೆದುಕೊಂಡಿರುವ ಕ್ರಮಗಳೇನು; (ವಿವರ ನೀಡುವುದು) | ರಾಜ್ಯದಲ್ಲಿನ 5,960 ಗ್ರಾಮ ಪಂಚಾಯಿತಿಗಳಲ್ಲಿ 5,622 ಗ್ರಾಮ ಪಂಚಾಯಿತಿ ಗ್ರಂಥಾಲಯ ಮತ್ತು ಮಾಹಿತಿ ಕೇಂದ್ರಗಳಿರುತ್ತವೆ. ಉಳಿದ 338 ಗ್ರಾಮ ಪಂಚಾಯಿತಿಗಳಿಗೆ ಗ್ರಾಮ ಪಂಚಾಯಿತಿ ಗ್ರಂಥಾಲಯ ಮತ್ತು ಮಾಹಿತಿ ಕೇಂದ್ರ ಮಂಜೂರು ಮಾಡಲು ಪರಿಶೀಲಿಸಲಾಗುತ್ತಿದೆ. |
| (ಆ) | ಗ್ರಾಮ ಪಂಚಾಯಿತಿ ನೌಕರರಿಗೆ ನೀಡುತ್ತಿರುವ ಗೌರವಧನ 2-3 ತಿಂಗಳಿಗೊಮ್ಮೆ ನೀಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಪ್ರತಿ ತಿಂಗಳು ಗೌರವಧನ ನೀಡಲು ಸರ್ಕಾರ ತೆಗೆದುಕೊಂಡಿರುವ ಕ್ರಮಗಳೇನು;(ವಿವರ ನೀಡುವುದು) | ಗ್ರಾಮ ಪಂಚಾಯತಿ ನೌಕರರಿಗೆ ಕಾರ್ಮಿಕ ಇಲಾಖೆಯು ನಿಗದಿಪಡಿಸಿರುವಂತೆ ಕನಿಷ್ಠ ವೇತನ ಮತ್ತು ತುಟ್ಟಿಭತ್ಯೆ ನೀಡಲಾಗುತ್ತಿದೆ.<br><br>ಕರ್ನಾಟಕ ಗ್ರಾಮ ಸ್ವರಾಜ್ ಮತ್ತು ಪಂಚಾಯತ್ ರಾಜ್ ಅಧಿನಿಯಮ, 1993 ರ ಪ್ರಕರಣ 113 ರಂತೆ ಗ್ರಾಮ ಪಂಚಾಯತಿಯ ಸಿಬ್ಬಂದಿಗಳ ವೇತನವನ್ನು ಗ್ರಾಮ ಪಂಚಾಯತಿ ನಿಧಿಯಿಂದ ಅಂದರೆ ಸ್ವಂತ ಸಂಪನ್ಮೂಲದಿಂದ ಪಾವತಿಸುವುದು, ಪ್ರತಿಯೊಂದು ಗ್ರಾಮ ಪಂಚಾಯತಿಯ ಕರ್ತವ್ಯವಾಗಿರುತ್ತದೆ. ಆದರೂ ರಾಜ್ಯದ ಹಲವಾರು ಗ್ರಾಮ ಪಂಚಾಯತಿಗಳಲ್ಲಿ ಸಂಪನ್ಮೂಲದ ಕೊರತೆಯಿಂದ ಸಮಯಕ್ಕೆ ಸರಿಯಾಗಿ ಸಿಬ್ಬಂದಿಗಳ ವೇತನ ಪಾವತಿಸದ ಕಾರಣ ಸರ್ಕಾರವು ಗ್ರಾಮ ಪಂಚಾಯತಿಗಳಿಗೆ ಬಿಡುಗಡೆ ಮಾಡುವ ಅನುದಾನದಲ್ಲಿ ಭಾಗಶಃ ವೇತನಕ್ಕಾಗಿ ಪ್ರತ್ಯೇಕ ಅನುದಾನವನ್ನು ಬಿಡುಗಡೆ ಮಾಡುತ್ತಿದೆ.<br><br>ಪ್ರಸ್ತುತ ರಾಜ್ಯದ ಗ್ರಾಮ ಪಂಚಾಯತಿಗಳಲ್ಲಿ 1) ಬಿಲ್ ಕಲೆಕ್ಟರ್, 2) ಕ್ಲರ್ಕ್ ಕಂ ಡಾಟಾ ಎಂಟ್ರಿ ಆಪರೇಟರ್ / ಡಾಟಾ ಎಂಟ್ರಿ ಆಪರೇಟರ್, 3) ವಾಟರ್ ಆಪರೇಟರ್, 4) ಅಟೆಂಡೆಂಟ್ ಮತ್ತು 5) ಕ್ಲೀನರ್ಸ್ ಸೇರಿದಂತೆ ಸಿಬ್ಬಂದಿಗಳ ವೇತನಕ್ಕಾಗಿ ವಾರ್ಷಿಕವಾಗಿ ಒಟ್ಟು ರೂ.783.61 ಕೋಟಿ ಅನುದಾನದ ಅವಶ್ಯಕತೆ ಇದ್ದು, ಇದರಲ್ಲಿ ರೂ. 511.20 ಕೋಟಿಗಳನ್ನು ಸರ್ಕಾರದಿಂದ ತ್ರೈಮಾಸಿಕವಾಗಿ 4 ಕಂತುಗಳಲ್ಲಿ ಬಿಡುಗಡೆ ಮಾಡಲಾಗುತ್ತಿದೆ.<br><br>ವೇತನಕ್ಕಾಗಿ ಕೊರತೆಯಾಗುವ ರೂ.272.41 ಕೋಟಿಗಳಲ್ಲಿ ಮಹಾತ್ಮ ಗಾಂಧಿ ರಾಷ್ಟ್ರೀಯ ಗ್ರಾಮೀಣ ಉದ್ಯೋಗ ಖಾತರಿ ಯೋಜನೆಯ ಕಾರ್ಯಕ್ರಮದ ಸೇವೆ ನೀಡುವವರಿಗೆ ಸದರಿ ಯೋಜನೆಯಡಿ ರೂ. 61.50 ಕೋಟಿಗಳನ್ನು ವಾರ್ಷಿಕವಾಗಿ 2 ಕಂತುಗಳಲ್ಲಿ ಬಿಡುಗಡೆ ಮಾಡಲಾಗುತ್ತದೆ. |

| | | |
|---|---|---|
| | | 15ನೇ ಹಣಕಾಸು ಆಯೋಗದ ಅನುದಾನದಡಿಯಲ್ಲಿ ಕುಡಿಯುವ ನೀರು ನಿರ್ವಹಣೆ, ನೈರ್ಮಲ್ಯ ಕಾಪಾಡುವ ಕಾರ್ಯಕ್ರಮಗಳಿಗೆ ಅನುದಾನವನ್ನು ಮೀಸಲಿರಿಸಲಾಗಿದ್ದು, ಕುಡಿಯುವ ನೀರು ಸರಬರಾಜು ಮತ್ತು ಸ್ವಚ್ಛತೆ ಸೇವೆ ನೀಡುವವರಿಗೆ 15ನೇ ಹಣಕಾಸು ಆಯೋಗದ ಅನುದಾನದಡಿ ರೂ.160.90 ಕೋಟಿಗಳ ಅನುದಾನ ಮತ್ತು ಸ್ವಂತ ಸಂಪನ್ಮೂಲದಲ್ಲಿ 50.01 ಕೋಟಿಗಳನ್ನು ಗ್ರಾಮ ಪಂಚಾಯತಿಗಳು ಸಿಬ್ಬಂದಿಗಳ ವೇತನಕ್ಕಾಗಿ ಭರಿಸಲು ಅನುದಾನವನ್ನು ವರ್ಗಾವಣೆ ಮಾಡಿಕೊಂಡು ಸಿಬ್ಬಂದಿಗಳ ವೇತನ ಭರಿಸಲು ಕ್ರಮ ಕೈಗೊಳ್ಳುವಂತೆ ಗ್ರಾಮ ಪಂಚಾಯತಿಗಳಿಗೆ ದಿನಾಂಕ:25-11-2020 ರ ಸರ್ಕಾರದ ಆದೇಶದಲ್ಲಿ ನಿರ್ದೇಶನ ನೀಡಲಾಗಿದೆ. |
| (ಇ) | ಗ್ರಾಮ ಪಂಚಾಯಿತಿ ಗ್ರಂಥಾಲಯ ನೌಕರರ ಹುದ್ದೆ ಖಾಯಂಗೊಳಿಸುವ ಪ್ರಸ್ತಾವನೆ ಸರ್ಕಾರದ ಮುಂದಿದೆಯೇ; ಇದ್ದಲ್ಲಿ, ಮುಂದಿನ ಕ್ರಮಗಳೇನು? (ವಿವರ ನೀಡುವುದು) | ಪ್ರಸ್ತುತ ಇಂತಹ ಪ್ರಸ್ತಾವನೆ ಸರ್ಕಾರದ ಮುಂದಿರುವುದಿಲ್ಲ. |

ಸಂ. ಗ್ರಾಅಪ 341 ಗ್ರಾಪಂಅ 2021

**(ಕೆ.ಎಸ್. ಈಶ್ವರಪ್ಪ)**
ಗ್ರಾಮೀಣಾಭಿವೃದ್ಧಿ ಮತ್ತು ಪಂ.ರಾಜ್ ಸಚಿವರು.

ಕೆ.ಎಸ್. ಈಶ್ವರಪ್ಪ
ಗ್ರಾಮೀಣಾಭಿವೃದ್ಧಿ ಮತ್ತು
ಪಂಚಾಯತ್ ರಾಜ್ ಸಚಿವರು